# ಕರ್ನಾಟಕ ವಿಧಾನ ಪರಿಷತ್

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 129 |
| ಸದಸ್ಯರ ಹೆಸರು | : | ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು) |
| ವಿಷಯ | : | ಕೊಡಗು ಜಿಲ್ಲೆಯಲ್ಲಿ ಗಿರಿಜನ ಹಾಡಿಗಳಿಗೆ ಸೌಲಭ್ಯ ಕಲ್ಪಿಸುವ ಕುರಿತು. |
| ಉತ್ತರಿಸಬೇಕಾದ ದಿನಾಂಕ | : | 01.02.2021 |
| ಸಚಿವರ ಹೆಸರು ಮತ್ತು ಪದನಾಮ | : | ಮಾನ್ಯ ಸಮಾಜ ಕಲ್ಯಾಣ ಇಲಾಖಾ ಸಚಿವರು |

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕೊಡಗು ಜಿಲ್ಲೆಯಲ್ಲಿನ ಕಾಡಿನಂಚಿನ ಗ್ರಾಮಗಳು ಹಾಗೂ ಹಾಡಿಗಳಲ್ಲಿ ವಾಸವಾಗಿರುವ ಗಿರಿಜನರಿಗೆ ಇದುವರೆವಿಗೂ ಕನಿಷ್ಠ ಮೂಲಭೂತ ಸೌಲಭ್ಯಗಳು ಸಿಕ್ಕದೇ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಬಂದಿದೆ |
| ಆ) | ಬಂದಿದ್ದಲ್ಲಿ, ಸರ್ಕಾರ ಇದುವರೆಗೂ ಈ ಗಿರಿಜನರಿಗೆ ಕನಿಷ್ಠ ಮೂಲಭೂತ ಸೌಲಭ್ಯಗಳನ್ನು ಕಲ್ಪಿಸದೇ ಇರಲು ಕಾರಣಗಳೇನು; | ರಾಜೀವ್ ಗಾಂಧಿ ರಾಷ್ಟ್ರೀಯ ಉದ್ಯಾನವನದ ಅರಣ್ಯದ ಅಂಚಿನಲ್ಲಿರುವ ವಿರಾಜಪೇಟೆ ತಾಲ್ಲೂಕಿನ 5 ಹಾಡಿಗಳನ್ನು ಹೊರತುಪಡಿಸಿ ಉಳಿದ ಹಾಡಿಗಳಿಗೆ ಮೂಲಭೂತ ಸೌಕರ್ಯಗಳನ್ನು ಒದಗಿಸಲು ಅರಣ್ಯ ಇಲಾಖೆಯಿಂದ ಅನುಮತಿ ದೊರೆತಿರುವುದಿಲ್ಲ. ಇದನ್ನು ಹೊರತುಪಡಿಸಿ ಉಳಿದ ಹಾಡಿಗಳಿಗೆ ಅಗತ್ಯ ಮೂಲಭೂತ ಸೌಲಭ್ಯಗಳನ್ನು ಹಂತ ಹಂತವಾಗಿ ಒದಗಿಸಲಾಗುತ್ತಿದೆ.ರಾಜೀವ್ ಗಾಂಧಿ ರಾಷ್ಟ್ರೀಯ ಉದ್ಯಾನವನವನ್ನು ಹುಲಿ ಸಂರಕ್ಷಿತ ಪ್ರದೇಶವೆಂದು ಘೋಷಣೆ ಮಾಡಿರುವುದರಿಂದ ಕೋರ್ ಪ್ರದೇಶದಲ್ಲಿರುವ ಹಾಡಿಗಳಿಗೆ ಮೂಲಭೂತ ಸೌಕರ್ಯ ಕಾಮಗಾರಿ ಕೈಗೊಳ್ಳಲು ಅರಣ್ಯ ಇಲಾಖೆಯಿಂದ ಅನುಮತಿ ದೊರೆತಿರುವುದಿಲ್ಲ. ಅರಣ್ಯದ ಅಂಚಿನ 5 ಹಾಡಿಗಳಿಗೆ ಮಾತ್ರ ಅನುಮತಿಯನ್ನು ನೀಡಿರುತ್ತಾರೆ. ಉಳಿದ ಹಾಡಿಗಳಿಗೆ ಮೂಲಭೂತ ಸೌಕರ್ಯ ಒದಗಿಸಲು ಅರಣ್ಯ ಇಲಾಖೆಯಿಂದ ಅನುಮತಿ ನೀಡುವಂತೆ ಕೋರಿ ಯೋಜನಾ |

---2

| | | |
|---|---|---|
| | | ಸಮನ್ವಯಾಧಿಕಾರಿಗಳು, ಸಮಗ್ರ ಗಿರಿಜನ ಅಭಿವೃದ್ಧಿ ಯೋಜನೆ ಕೊಡಗು ಜಿಲ್ಲೆ ಇವರು ನಿರ್ದೇಶಕರು ಹಾಗೂ ಉಪ ಅರಣ್ಯ ಸಂರಕ್ಷಣಾಧಿಕಾರಿ, ರಾಜೀವ್ ಗಾಂಧಿ ರಾಷ್ಟ್ರೀಯ ಉದ್ಯಾನವನ, ಹುಣಸೂರು ರವರಿಗೆ ಕೋರಿರುತ್ತಾರೆ. ಈ ಬಗ್ಗೆ ರಾಜ್ಯ ಮಟ್ಟದಲ್ಲಿ ಹಲವಾರು ಸಭೆಗಳನ್ನು ನಡೆಸಿ ಮೂಲಭೂತ ಸೌಕರ್ಯಗಳನ್ನು ಒದಗಿಸಲು ಜರೂರು ಅನುಮತಿ ನೀಡುವಂತೆ ಅರಣ್ಯ ಇಲಾಖೆಗೆ ಸೂಚಿಸಲಾಗಿರುತ್ತದೆ. |
| ಇ) | ಯಾವ ಕಾಲಮಿತಿಯೊಳಗೆ ಗಿರಿಜನರು ವಾಸವಾಗಿರುವ ಜಿಲ್ಲೆಯಲ್ಲಿನ ಕಾಡಿನಂಚಿನ ಗ್ರಾಮಗಳು ಹಾಗೂ ಹಾಡಿಗಳಿಗೆ ಮೂಲಭೂತ ಸೌಲಭ್ಯಗಳನ್ನು ಕಲ್ಪಿಸಲಾಗುವುದು? | ಅರಣ್ಯ ಇಲಾಖೆಯಿಂದ ಅನುಮತಿ ದೊರೆತ ಕೂಡಲೇ ಸದರಿ ಹಾಡಿಗಳಿಗೆ ಮೂಲಭೂತ ಸೌಕರ್ಯ ಒದಗಿಸಲು ಕ್ರಮವಹಿಸಲಾಗುವುದು. |

**ಸಕಇ 26 ಎಸ್‌ಟಿಪಿ 2021**

(ಬಿ.ಶ್ರೀರಾಮುಲು)
ಸಮಾಜ ಕಲ್ಯಾಣ ಸಚಿವರು